# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಮೊದಲನೇ ಅಧಿವೇಶನ)

**ಕಾರ್ಯಕಲಾಪಗಳ ಪಟ್ಟಿ**

ಸೋಮವಾರ, ದಿನಾಂಕ 10ನೇ ಜೂನ್, 2013
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

**1. ಘನತೆವೆತ್ತ ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ**

ಶ್ರೀ ಬಸವರಾಜ ರಾಯರೆಡ್ಡಿ, ಅವರು ದಿನಾಂಕ: 04ನೇ ಜೂನ್, 2013ರಂದು ಸೂಚಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ.

"2013ರ ಜೂನ್, 3ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಘನತೆವೆತ್ತ ರಾಜ್ಯಪಾಲರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ"

(ನಾಲ್ಕನೇ ದಿನ)

**2. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ**

1. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಕೆ.ಎಂ. ಶಿವಲಿಂಗೇಗೌಡ, ವೈ.ಎಸ್.ವಿ. ದತ್ತ, ಸಿ.ಎನ್ ಬಾಲಕೃಷ್ಣ, ಸಿ.ಬಿ ಸುರೇಶ್ ಬಾಬು ಹಾಗೂ ಇತರರು ರಾಜ್ಯದಲ್ಲಿ ಹಲವಾರು ತಾಲ್ಲೂಕುಗಳನ್ನು ಬರಗಾಲಪೀಡಿತ ತಾಲ್ಲೂಕುಗಳೆಂದು ಸರ್ಕಾರವು ಘೋಷಿಸಿದ್ದು, ಕುಡಿಯುವ ನೀರಿಗೆ ತೀವ್ರ ತೊಂದರೆಯುಂಟಾಗಿರುವುದರಿಂದ ತುರ್ತು ಕ್ರಮ ಕೈಗೊಳ್ಳುವಲ್ಲಿ ವಿಫಲವಾಗಿರುವ ವಿಚಾರದಲ್ಲಿ ನೀಡಿರುವ ಸೂಚನೆಯ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಎನ್. ಚಲುವರಾಯಸ್ವಾಮಿ, ಹೆಚ್.ಕೆ. ಕುಮಾರಸ್ವಾಮಿ, ಡಿ.ನಾಗರಾಜಯ್ಯ ಎಸ್. ಭೀಮನಾಯಕ ಹಾಗೂ ಇತರರು ಹಾಸನ ಮತ್ತು ಶಿವಮೊಗ್ಗ ಪಶು ವೈದ್ಯಕೀಯ ಕಾಲೇಜುಗಳು ಭಾರತೀಯ ಪಶು ವೈದ್ಯಕೀಯ ಪರಿಷತ್ತಿನಿಂದ ನೋಂದಣಿ ಆಗದಿರುವ ಪ್ರಯುಕ್ತ ಸದರಿ ಕಾಲೇಜುಗಳಿಗೆ ವೈದ್ಯಕೀಯ ಅಭ್ಯರ್ಥಿಗಳು ಸಲ್ಲಿಸಿದ ಅರ್ಜಿಗಳನ್ನು ತಿರಸ್ಕರಿಸಿರುವುದರಿಂದ ಉಂಟಾಗಿರುವ ಅನಾನುಕೂಲತೆ ವಿಚಾರದಲ್ಲಿ ನೀಡಿರುವ ಸೂಚನೆಯ ಬಗ್ಗೆ ಚರ್ಚೆ.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
(www.kar.nic.in/kla)